ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 16ನೇ ಮಾರ್ಚ್, 2020

ರಾಜ್ಯದ ವಿಶ್ವವಿದ್ಯಾಲಯಗಳ ಕುಲಪತಿಗಳ ನೇಮಕಾತಿ ಕುರಿತು.

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

968 (1191) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದ ಹಲವಾರು ವಿಶ್ವವಿದ್ಯಾಲಯಗಳಲ್ಲಿ ಉಪ ಕುಲಪತಿಗಳ ಹುದ್ದೆ ಖಾಲಿ ಇದ್ದಾಗ ಅನೇಕ ಬಾರಿ ತಾತ್ಕಾಲಿಕವಾಗಿ ಉಪ ಕುಲಪತಿಗಳನ್ನು ನೇಮಕ ಮಾಡಲಾಗುತ್ತಿದ್ದು, ಅವರುಗಳಿಗೆ ಪೂರ್ಣ ಪ್ರಮಾಣದ ಅಧಿಕಾರದ ಕೊರತೆಯಿಂದಾಗಿ ಆಡಳಿತದ ಮೇಲೆ ವ್ಯತಿರಿಕ್ತ ಪರಿಣಾಮ ಬೀರುತ್ತಿರುವ ವಿಷಯ ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬಂದಿದ್ದಲ್ಲಿ, ಇದರ ಸುಧಾರಣೆಗಾಗಿ ಸರ್ಕಾರ ಯಾವ ಕ್ರಮ ಕೈಗೊಂಡಿದೆ ;

(ಇ) ಈ ಪದ್ಧತಿಯನ್ನು ನಿಲ್ಲಿಸಲು ಒಬ್ಬ ಕುಲಪತಿಯ ಅವಧಿ ಮುಗಿಯುವ ಮೊದಲೇ ಹೊಸ ಕುಲಪತಿಗಳ ನೇಮಕಾತಿ ಪ್ರಕ್ರಿಯೆ ಮುಗಿಸಿ ಸ್ಥಿರ ಆಡಳಿತ ನೀಡುವ ಕುರಿತು ಸರ್ಕಾರದ ನಿಲುವೇನು;

(ಈ) ರಾಜ್ಯದಲ್ಲಿ ಯಾವ ಯಾವ ವಿಶ್ವವಿದ್ಯಾಲಯಗಳಲ್ಲಿ ಕುಲಪತಿಗಳ ಹುದ್ದೆಗಳು ಖಾಲಿ ಇವೆ ; ಇದ್ದಲ್ಲಿ, ಇವುಗಳನ್ನು ಯಾವಾಗ ಭರ್ತಿ ಮಾಡಲಾಗುವುದು ?